# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : 2277 |
| ಮಾನ್ಯ ಸದಸ್ಯರ ಹೆಸರು | : ಶ್ರೀ ಪ್ರದೀಪ್ ಶೆಟ್ಟರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | : 21.03.2022 |
| ಉತ್ತರಿಸುವ ಸಚಿವರು | : ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು |

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ | ರಾಜ್ಯದಲ್ಲಿ "ಆಯುಷ್ಮಾನ್ ಭಾರತ" ಯೋಜನೆಯಡಿಯಲ್ಲಿ ಧಾರವಾಡ, ಗದಗ ಹಾಗೂ ಹಾವೇರಿ ಜಿಲ್ಲೆಗಳ ವ್ಯಾಪ್ತಿಯಲ್ಲಿ ಎಷ್ಟು ಫಲಾನುಭವಿಗಳಿಗೆ 'ಆಯುಷ್ಮಾನ್ ಕಾರ್ಡ್' ವಿತರಣೆ ಮಾಡಲಾಗಿದೆ; | ಆಯುಷ್ಮಾನ್ ಭಾರತ್-ಆರೋಗ್ಯ ಕರ್ನಾಟಕ ಯೋಜನೆಯಡಿಯಲ್ಲಿ ಇದುವರೆಗೂ ಧಾರವಾಡ ಜಿಲ್ಲೆಯಲ್ಲಿ 4,34,519 ಗದಗ ಜಿಲ್ಲೆಯಲ್ಲಿ 1,89,234 ಮತ್ತು ಹಾವೇರಿ ಜಿಲ್ಲೆಯಲ್ಲಿ 3,35,353 ಕಾರ್ಡ್‌ಗಳನ್ನು ವಿತರಿಸಲಾಗಿದೆ. |
| ಆ | ಈ ಯೋಜನೆಯಡಿಯಲ್ಲಿ ಫಲಾನುಭವಿಗಳಿಗೆ ಸೌಲಭ್ಯ ಒದಗಿಸಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು? | ರಾಜ್ಯದಲ್ಲಿ ಆಯುಷ್ಮಾನ್ ಭಾರತ್ - ಆರೋಗ್ಯ ಕರ್ನಾಟಕ ಯೋಜನೆ ದಿನಾಂಕ 30.10.2018ರಿಂದ ಜಾರಿಯಲ್ಲಿರುತ್ತದೆ. ಈ ಸಂಯೋಜಿತ ಯೋಜನೆಯ ಅನುಷ್ಠಾನದ ಕುರಿತು ದಿನಾಂಕ:15.11.2018ರಂದು ಸರ್ಕಾರದ ಆದೇಶ ಹೊರಡಿಸಲಾಗಿದೆ.<br><br>ಆಯುಷ್ಮಾನ್ ಭಾರತ್-ಆರೋಗ್ಯ ಕರ್ನಾಟಕ ಯೋಜನೆಯಡಿಯಲ್ಲಿ ಚಿಕಿತ್ಸೆ ಪಡೆಯಲು ಬಿ.ಪಿ.ಎಲ್. ಅಥವಾ ಎ.ಪಿ.ಎಲ್. ಕಾರ್ಡ್ ಮತ್ತು ಆಧಾರ್ ಕಾರ್ಡ್ ಯೋಜನೆಯ ಮಾನದಂಡವಾಗಿರುತ್ತದೆ.<br><br>ಅರ್ಹತಾ (ಬಿ.ಪಿ.ಎಲ್) ಕುಟುಂಬಕ್ಕೆ ಒಂದು ವರ್ಷಕ್ಕೆ ರೂ.5.00 ಲಕ್ಷಗಳವರೆಗೆ ಉಚಿತ ಚಿಕಿತ್ಸೆ ಒದಗಿಸಲಾಗುವುದು. ಸಾಮಾನ್ಯ (ಎ.ಪಿ.ಎಲ್) ಕುಟುಂಬಕ್ಕೆ ಸರ್ಕಾರಿ ಪ್ಯಾಕೇಜ್ ದರದ 30% ರಷ್ಟು ಇದ್ದು, ಸಹ-ಪಾವತಿಯ ಆಧಾರದ ಮೇಲೆ ಒಟ್ಟಾರೆ ವಾರ್ಷಿಕ ಮಿತಿ ಪ್ರತಿ ಕುಟುಂಬಕ್ಕೆ ರೂ.1.50 ಲಕ್ಷ ಇರುತ್ತದೆ.<br><br>ಆಯುಷ್ಮಾನ್ ಭಾರತ್-ಆರೋಗ್ಯ ಕರ್ನಾಟಕ ಯೋಜನೆಯಡಿ ಸಾಮಾನ್ಯ ದ್ವಿತೀಯ ಹಂತದ 291 ಚಿಕಿತ್ಸಾ ವಿಧಾನಗಳು, ಕ್ಲಿಷ್ಟಕರ ದ್ವಿತೀಯ ಹಂತದ 254 ಚಿಕಿತ್ಸಾ ವಿಧಾನಗಳು, ತೃತೀಯ ಹಂತದ 900 ಚಿಕಿತ್ಸಾ ವಿಧಾನಗಳು 169 ತುರ್ತು ಚಿಕಿತ್ಸೆಗಳು ಹಾಗೂ 36 ಉಪ ಚಿಕಿತ್ಸಾ ವಿಧಾನಗಳು ಸೇರಿದಂತೆ ಒಟ್ಟು 1650 ಚಿಕಿತ್ಸೆಗಳನ್ನು ಒದಗಿಸಲಾಗುತ್ತಿದೆ.<br><br>561 ಖಾಸಗಿ ಆಸ್ಪತ್ರೆಗಳು ಹಾಗೂ 2909 ಸರ್ಕಾರಿ ಆಸ್ಪತ್ರೆಗಳು ಒಟ್ಟು 3470 ಆಸ್ಪತ್ರೆಗಳು ಈ ಯೋಜನೆಯಡಿ ನೊಂದಾಯಿಸಲಾಗಿರುತ್ತದೆ.<br><br>ಈ ಯೋಜನೆಯ ಉಪಯೋಗ ಪಡೆಯಲು ಸಾರ್ವಜನಿಕರಿಗೆ ಸರ್ಕಾರಿ ಆರೋಗ್ಯ ಸಂಸ್ಥೆಗಳಲ್ಲಿ, B-1 ಕೇಂದ್ರಗಳಲ್ಲಿ, K-1 ಕೇಂದ್ರಗಳಲ್ಲಿ ಮತ್ತು ಸೇವಾಸಿಂಧು ಕೇಂದ್ರಗಳಲ್ಲಿ ಎಬಿ-ಎಆರ್‌ಕೆ ಕಾರ್ಡ್‌ಗಳನ್ನು ವಿತರಣೆ ಮಾಡಲಾಗುತ್ತಿದೆ. |

| | | |
|---|---|---|
| | | ಫಲಾನುಭವಿಗಳು ಸರ್ಕಾರಿ ಆಸ್ಪತ್ರೆಗಳಲ್ಲಿ ಚಿಕಿತ್ಸಾ ಸೌಲಭ್ಯ ಇಲ್ಲದಿದ್ದಲ್ಲಿ ರೆಫರಲ್ ಲೆಟರ್ ಮೂಲಕ ನೊಂದಾಯಿತ ಮೇಲ್ದರ್ಜೆಯ ಸರ್ಕಾರಿ ಹಾಗೂ ಖಾಸಗಿ ಆಸ್ಪತ್ರೆಗಳಲ್ಲಿ ಚಿಕಿತ್ಸೆ ಪಡೆಯುವ ಸೌಲಭ್ಯ ಇರುತ್ತದೆ. ಸರ್ಕಾರಿ ಆಸ್ಪತ್ರೆಗಳಲ್ಲಿ ಫಲಾನುಭವಿಗಳ ರೋಗದ ತನಿಖೆ ಹಾಗೂ ರೋಗನಿರ್ಣಯ ಸರ್ಕಾರ ನಿಗದಿಪಡಿಸಿರುವ ದರಗಳಲ್ಲಿ ಆಗುವುದು. ರೆಫರಲ್ ಪಡೆಯುವುದರಿಂದ ಫಲಾನುಭವಿಗಳಿಗೆ ಯಾವುದೇ ಖರ್ಚಿಲ್ಲದೆ (out of pocket expenditure) ನೊಂದಾಯಿತ ಆಸ್ಪತ್ರೆಗಳಲ್ಲಿ ಚಿಕಿತ್ಸೆ ಪಡೆಯಲು ಅನೂಕೂಲಕರವಾಗಿರುತ್ತದೆ.<br><br>169 ತುರ್ತು ಚಿಕಿತ್ಸಾ ವಿಧಾನಗಳಿಗೆ ಯಾವುದೇ ರೆಫರಲ್ ಇಲ್ಲದೆ ನೇರವಾಗಿ ನೊಂದಾಯಿತ ಸರ್ಕಾರಿ ಅಥವಾ ಖಾಸಗಿ ಆಸ್ಪತ್ರೆಗಳಲ್ಲಿ ಚಿಕಿತ್ಸೆ ಪಡೆಯಬಹುದಾಗಿದೆ.<br><br>ಈ ಯೋಜನೆಯ ಪ್ರಯೋಜನ ಪಡೆಯಲು ಅನುಕೂಲವಾಗುವಂತೆ ಪ್ರತಿ ಜಿಲ್ಲೆಯಲ್ಲಿ ಜಿಲ್ಲಾ ಸಂಯೋಜಕರನ್ನು ಹಾಗೂ ಪ್ರತಿ ನೊಂದಾಯಿತ ಆಸ್ಪತ್ರೆಗಳಲ್ಲಿ ಆರೋಗ್ಯ ಮಿತ್ರರನ್ನು ನೇಮಿಸಲಾಗಿದೆ.<br><br>ಈ ಯೋಜನೆಯ ಕುರಿತು ಸಾರ್ವಜನಿಕರಿಗೆ ಹೆಚ್ಚಿನ ಮಾಹಿತಿ ನೀಡುವ ಸಲುವಾಗಿ ರಾಜ್ಯಾದಾದ್ಯಂತ ತಾಲ್ಲೂಕು ಮಟ್ಟದಲ್ಲಿ, ಜಿಲ್ಲಾ ಮಟ್ಟದಲ್ಲಿ ಹಾಗೂ ರಾಜ್ಯ ಮಟ್ಟದಲ್ಲಿ ಪ್ರಚಾರ ಕಾರ್ಯಕ್ರಮಗಳನ್ನು ನಡೆಸಲಾಗುತ್ತಿದೆ.<br><br>ಈ ಯೋಜನೆಯಡಿಯಲ್ಲಿ ಕೋವಿಡ್ ಸಾಂಕ್ರಾಮಿಕ ರೋಗದ ಚಿಕಿತ್ಸೆಯನ್ನು ಉಚಿತವಾಗಿ ಪಡೆಯಲು ಸಾರ್ವಜನಿಕರಿಗೆ ಸೌಲಭ್ಯ ಒದಗಿಸಲಾಗಿದೆ. ಇದುವರೆಗೆ 2,86,577 ಫಲಾನುಭವಿಗಳು ಕೋವಿಡ್ ಚಿಕಿತ್ಸೆಯನ್ನು ಪಡೆದಿರುತ್ತಾರೆ. |

ಆಕುಕ 83 ಎಸ್‌ಬಿವಿ 2022

(ಡಾ॥ ಕೆ. ಸುಧಾಕರ್)
ಆರೋಗ್ಯ ಮತ್ತು ಕುಟುಂಬ ಕಲ್ಯಾಣ
ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು